


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ಗುರುತಿನ ಪ್ರಶ್ನೆ**

ದಿನಾಂಕ : 09-03-2021 ಪ್ರಶ್ನೆ ಸಂಖ್ಯೆ : 126(866)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕೆ. ಎ. ತಿಪ್ಪೇಸ್ವಾಮಿ(ನಾಮನಿರ್ದೇಶನ ಹೊಂದಿದವರು)

ಉತ್ತರ ನೀಡಬೇಕಾದ ದಿನಾಂಕ : 09-03-2021

ಉತ್ತರಿಸುವ ಸಚಿವರು: ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳ ಸಚಿವರು

ವಿಷಯ : ಆಹಾರ ಸುರಕ್ಷತೆ ಮತ್ತು ಮಾನದಂಡ ಕಾಯಿದೆ-2006ರ ಬಗ್ಗೆ

(ಅ) ಆಹಾರ ಸುರಕ್ಷತೆ ಮತ್ತು ಮಾನದಂಡ ಕಾಯಿದೆ-2006 (Food Safety & Standards Act - 2006) ಅಡಿಯಲ್ಲಿ ಒಳಪಡುವ ರಾಜ್ಯ ಸರ್ಕಾರ ವಿವಿಧ ಇಲಾಖೆಗಳು ಯಾವುವು ಮತ್ತು ಆ ಇಲಾಖೆಗಳು ಅನುಷ್ಠಾನಗೊಳಿಸುವ ಕಾರ್ಯಗಳು ಯಾವುವು; (ಸಂಪೂರ್ಣ ವಿವರ ನೀಡುವುದು)

(ಆ) ಈ ಕಾಯಿದೆಯನ್ನು ಅನುಷ್ಠಾನಗೊಳಿಸಲು ಮತ್ತು ವಿವಿಧ ಅಂಶಗಳ ಕಾರ್ಯನಿರ್ವಹಣೆಯನ್ನು ರಾಜ್ಯ ಸರ್ಕಾರ ಮತ್ತು ಕೇಂದ್ರ ಸರ್ಕಾರದ ಆದೇಶದಂತೆ ನಿಯಮಗಳನ್ನು ರೂಪಿಸಲಾಗಿದೆಯೇ; (ಸಂಪೂರ್ಣ ಮಾಹಿತಿ ನೀಡುವುದು)

(ಇ) ಆಹಾರ ಸುರಕ್ಷತೆ ಮತ್ತು ಮಾನದಂಡ ಕಾಯಿದೆ-2006 ಮತ್ತು ಇದಕ್ಕೆ ಸಂಬಂಧಿಸಿದ ಕಾಯಿದೆಗಳನ್ನು ಜಾರಿ ಅನುಷ್ಠಾನ ನಿರ್ವಹಣೆ ಮತ್ತು ಮೇಲುಸ್ತುವಾರಿ ಅಥವಾ ನಿಗಾ ವಹಿಸಲು ರಾಜ್ಯ ಸರ್ಕಾರ ರೂಪಿಸಿರುವ ವ್ಯವಸ್ಥೆಗಳೇನು; (ಸಂಪೂರ್ಣ ವಿವರ ನೀಡುವುದು)

(ಈ) ಆಹಾರ ಮತ್ತು ಸಂಸ್ಕರಿಸುವ ಪದಾರ್ಥಗಳ ಗುಣಮಟ್ಟ ಕಾಪಾಡಲು ಮತ್ತು ತನಿಖೆ ನಡೆಸಲು ನಗರ ಮತ್ತು ಪಟ್ಟಣ ಮತ್ತು ಗ್ರಾಮಾಂತರ ಪ್ರದೇಶಗಳಲ್ಲಿ ನಿರ್ಮಿಸಿರುವ ಪ್ರಯೋಗಾಲಯಗಳ ವ್ಯವಸ್ಥೆ ಏನು; (ವಿವರ ನೀಡುವುದು)

(ಉ) ಕಳೆದ 3 ವರ್ಷಗಳಲ್ಲಿ ಈ ಕಾಯಿದೆ ಅಡಿಯಲ್ಲಿ ದಾಖಲು ಮಾಡಿದ ಮೊಕದ್ದಮೆಗಳೆಷ್ಟು; ಅವುಗಳಿಗೆ ಸಂಬಂಧಿಸಿದಂತೆ ಶಿಕ್ಷೆ ವಿಧಿಸಿರುವ ಪ್ರಕರಣಗಳೆಷ್ಟು? (ವಿವರ ನೀಡುವುದು)